# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ನಾಲ್ಕನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಮಂಗಳವಾರ, ದಿನಾಂಕ 22ನೇ ಜುಲೈ, 2014
(ಸಮಯ: ಬೆಳಗ್ಗೆ 10.00 ಗಂಟೆಗೆ)

----

### 1. ವರದಿಗಳನ್ನೊಪ್ಪಿಸುವುದು

1. ಶ್ರೀ ಅಪ್ಪಾಜಿ, ಸಿ.ಎಸ್. ನಾಡಗೌಡ (ಅಧ್ಯಕ್ಷರು, ಸ್ಥಳೀಯ ಸಂಸ್ಥೆಗಳ ಮತ್ತು ಪಂಚಾಯತ್ ರಾಜ್ ಸಮಿತಿ) ಅವರು 2013-14ನೇ ಸಾಲಿನ ಸ್ಥಳೀಯ ಸಂಸ್ಥೆಗಳ ಮತ್ತು ಪಂಚಾಯತ್ ರಾಜ್ ಸಮಿತಿಯ ಆರನೇ ವರದಿಯನ್ನೊಪ್ಪಿಸುವುದು.
2. ಶ್ರೀ ಮಾಲಿಕಯ್ಯ ವೆಂಕಯ್ಯ ಗುತ್ತೇದಾರ್ (ಅಧ್ಯಕ್ಷರು, ಅಂದಾಜುಗಳ ಸಮಿತಿ) ಅವರು 2013-14ನೇ ಸಾಲಿನ ಅಂದಾಜುಗಳ ಸಮಿತಿಯ ಎರಡನೇ ಮತ್ತು ಮೂರನೇ ವರದಿಗಳನ್ನೊಪ್ಪಿಸುವುದು.

### 2. ಅರ್ಜಿಯನ್ನೊಪ್ಪಿಸುವುದು

ಶ್ರೀ ಆರ್. ಅಖಂಡ ಶ್ರೀನಿವಾಸ ಮೂರ್ತಿ (ಸದಸ್ಯರು, ಅರ್ಜಿಗಳ ಸಮಿತಿ) ಅವರು ದಿನಗೂಲಿ ಆಧಾರದ ಮೇಲೆ ಕಾರ್ಯನಿರ್ವಹಿಸುತ್ತಿದ್ದ ನೌಕರರು ಖಾಯಂಗೊಂಡು ಸೇವೆ ಸಲ್ಲಿಸಿ ನಿವೃತ್ತಿಯಾದ ನಂತರ ಅವರಿಗೆ ಪಿಂಚಣಿ ಸೌಲಭ್ಯ ಒದಗಿಸುವ ಬಗೆಗಿನ ಅರ್ಜಿಯನ್ನೊಪ್ಪಿಸುವುದು.

### 3. ಶಾಸನ ರಚನೆ

### I. ವಿಧೇಯಕವನ್ನು ಮಂಡಿಸುವುದು

**ಕರ್ನಾಟಕ ಭೂ ಸುಧಾರಣೆಗಳ ಮತ್ತು ಕೆಲವು ಇತರ ಕಾನೂನು (ತಿದ್ದುಪಡಿ)ವಿಧೇಯಕ, 2014**
**ಶ್ರೀ ವಿ. ಶ್ರೀನಿವಾಸ ಪ್ರಸಾದ್ (ಕಂದಾಯ ಸಚಿವರು) ಅವರು:-**

ಅ) 2014ನೇ ಸಾಲಿನ ಕರ್ನಾಟಕ ಭೂ ಸುಧಾರಣೆಗಳ ಮತ್ತು ಕೆಲವು ಇತರ ಕಾನೂನು (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;
ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

### II. ವಿಧೇಯಕಗಳನ್ನು ಪರ್ಯಾಲೋಚಿಸುವುದು ಹಾಗೂ ಅಂಗೀಕರಿಸುವುದು

1. **ಕರ್ನಾಟಕ ಗೃಹ ರಕ್ಷಕ ದಳ (ತಿದ್ದುಪಡಿ) ವಿಧೇಯಕ, 2014**
**ಶ್ರೀ ಕೆ.ಜೆ. ಜಾರ್ಜ್ (ಗೃಹ ಸಚಿವರು) ಅವರು:-**

ಅ) 2014ನೇ ಸಾಲಿನ ಕರ್ನಾಟಕ ಗೃಹ ರಕ್ಷಕ ದಳ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

ಪು.ತಿ.ನೋ.,

2. **ಕರ್ನಾಟಕ ವೃತ್ತಿ ಶಿಕ್ಷಣ ಸಂಸ್ಥೆಗಳ (ಪ್ರವೇಶ ನಿಯಂತ್ರಣ ಮತ್ತು ಶುಲ್ಕ ನಿಗದಿ) (ವಿಶೇಷ ಉಪಬಂಧಗಳು) ವಿಧೇಯಕ, 2014**

**ಶ್ರೀ ಆರ್.ವಿ. ದೇಶಪಾಂಡೆ (ಉನ್ನತ ಶಿಕ್ಷಣ ಮತ್ತು ಪ್ರವಾಸೋದ್ಯಮ ಸಚಿವರು)ಅವರು:-**

ಅ) 2014ನೇ ಸಾಲಿನ ಕರ್ನಾಟಕ ವೃತ್ತಿ ಶಿಕ್ಷಣ ಸಂಸ್ಥೆಗಳ (ಪ್ರವೇಶ ನಿಯಂತ್ರಣ ಮತ್ತು ಶುಲ್ಕ ನಿಗದಿ) (ವಿಶೇಷ ಉಪಬಂಧಗಳು)ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 4. ವಿತ್ತೀಯ ಕಾರ್ಯಕಲಾಪಗಳು

ಅ) 2014-15ನೇ ಸಾಲಿನ ಈ ಕೆಳಕಂಡ ಅನುದಾನ ಬೇಡಿಕೆಯ ಮೇಲೆ ಚರ್ಚೆ ಹಾಗೂ ಸರ್ಕಾರದ ಉತ್ತರ ಮತ್ತು ಮತಕ್ಕೆ ಹಾಕುವುದು

| **ಬೇಡಿಕೆ ಸಂಖ್ಯೆ** | **ಬೇಡಿಕೆಯ ಹೆಸರು** |
|---|---|
| 22 | ಆರೋಗ್ಯ ಮತ್ತು ಕುಟುಂಬ ಕಲ್ಯಾಣ |

ಆ) 2014-15ನೇ ಸಾಲಿನ ಈ ಕೆಳಕಂಡ ಅನುದಾನ ಬೇಡಿಕೆಗಳ ಮಂಡನೆ, ಚರ್ಚೆ ಹಾಗೂ ಸರ್ಕಾರದ ಉತ್ತರ ಮತ್ತು ಮತಕ್ಕೆ ಹಾಕುವುದು

| **ಬೇಡಿಕೆ ಸಂಖ್ಯೆ** | **ಬೇಡಿಕೆಯ ಹೆಸರು** |
|---|---|
| 20 | ಲೋಕೋಪಯೋಗಿ |
| 21 | ಜಲಸಂಪನ್ಮೂಲ |

## 5. ಪ್ರಶ್ನೋತ್ತರ

**ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು** : **ಇಪ್ಪತ್ತೆರಡನೇ ಪಟ್ಟಿ**

**ಆ)**(i) ದಿನಾಂಕ 01.07.2014ರ ಏಳನೇ ಪಟ್ಟಿಯಿಂದ ತಡೆಹಿಡಿಯಲಾದ ಶ್ರೀ ಹೆಚ್.ಕೆ. ಕುಮಾರಸ್ವಾಮಿ ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 101(732) : ನಗರಾಭಿವೃದ್ಧಿ ಸಚಿವರು

(ii) ದಿನಾಂಕ 01.07.2014ರ ಏಳನೇ ಪಟ್ಟಿಯಿಂದ ತಡೆಹಿಡಿಯಲಾದ ಶ್ರೀ ಐಹೊಳೆ ಡಿ. ಮಹಾಲಿಂಗಪ್ಪ ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 102(734) : ಮುಖ್ಯಮಂತ್ರಿಯವರು

**ಪು.ತಿ.ನೋ.,**

(iii)ದಿನಾಂಕ 26.06.2014ರ ನಾಲ್ಕನೇ ಪಟ್ಟಿಯಿಂದ ವರ್ಗಾವಣೆಗೊಂಡ ಶ್ರೀ ಪಿ. ರಾಜೀವ್ ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 55(321) : ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳು ಹಾಗೂ ಸಂಸದೀಯ ವ್ಯವಹಾರಗಳು, ಶಾಸನ ರಚನೆ ಮತ್ತು ಪಶುಸಂಗೋಪನೆ ಸಚಿವರು

**ಇ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಇಪ್ಪತ್ತೆರಡನೇ ಪಟ್ಟಿ**

## 6. ಅಧಿಕೃತ ನಿರ್ಣಯ

**ಶ್ರೀ ಟಿ.ಬಿ. ಜಯಚಂದ್ರ, ಮಾನ್ಯ ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳು ಹಾಗೂ ಸಂಸದೀಯ ವ್ಯವಹಾರಗಳು, ಶಾಸನ ರಚನೆ ಮತ್ತು ಪಶುಸಂಗೋಪನೆ ಸಚಿವರು:-**

"ಭಾರತ ಸಂವಿಧಾನದ ಭಾಗ-xvii ರ ಅಧ್ಯಾಯ iii ರಲ್ಲಿನ ಅನುಚ್ಛೇದ 348(2)ರ ಮೇರೆಗೆ ಕರ್ನಾಟಕ ರಾಜ್ಯ ಉಚ್ಚ ನ್ಯಾಯಾಲಯದಲ್ಲಿನ ನಡವಳಿಕೆಗಳನ್ನು ರಾಜ್ಯದ ಅಧಿಕೃತ ಭಾಷೆಯಾದ ಕನ್ನಡದಲ್ಲಿ ನಡೆಸಲು ಅನುವಾಗುವಂತೆ ರಾಜ್ಯ ಘನತೆವೆತ್ತ ರಾಜ್ಯಪಾಲರು, ಘನತೆವೆತ್ತ ರಾಷ್ಟ್ರಪತಿಗಳ ಪೂರ್ವಾನುಮತಿ ಪಡೆಯಬೇಕೆಂದು ಈ ಸದನವು ಸರ್ವಾನುಮತದಿಂದ ಒತ್ತಾಯಿಸುವುದು".

**ಪಿ.ಓಂಪ್ರಕಾಶ**
ಕಾರ್ಯದರ್ಶಿ

*Raj N*

ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.
(www.kar.nic.in/kla)